ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 09ನೇ ಮಾರ್ಚ್, 2020

ರಾಜ್ಯದ ಸರ್ಕಾರಿ ಆಸ್ಪತ್ರೆ ಹಾಗೂ ಆವರಣದ ಸ್ವಚ್ಛತೆ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ್ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

422 (551) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದ ಸರ್ಕಾರಿ ಆಸ್ಪತ್ರೆಗಳು, ಆಸ್ಪತ್ರೆಯ ಆವರಣ, ಶೌಚಾಲಯಗಳಲ್ಲಿ ಸ್ವಚ್ಛತೆಯ ಕೊರತೆಯಿಂದ ಸೊಳ್ಳೆ ಹಾಗೂ ಹಲವಾರು ಕ್ರಿಮಿಕೀಟಗಳ ಆವಾಸ ಸ್ಥಾನವಾಗಿ ವಿವಿಧ ರೀತಿಯಸಾಂಕ್ರಾಮಿಕ ರೋಗ ಹರಡಲು ಕಾರಣವಾಗುತ್ತಿರುವ ವಿಷಯ ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ಸರ್ಕಾರಿ ಆಸ್ಪತ್ರೆ ಶೌಚಾಲಯ ಹಾಗೂ ಆವರಣಗಳ ಸ್ವಚ್ಛತೆಯ ನಿರ್ವಹಣೆ ಕುರಿತು ಸರ್ಕಾರ ತೆಗೆದುಕೊಂಡಿರುವ ಕ್ರಮಗಳೇನು ;

(ಇ) ರಾಜ್ಯದಲ್ಲಿ ಎಷ್ಟು ಸಾರ್ವಜನಿಕ ಆಸ್ಪತ್ರೆಗಳಿವೆ; (ಜಿಲ್ಲಾವಾರು /ತಾಲ್ಲೂಕುವಾರು ವಿವರ ನೀಡುವುದು)

(ಈ) ಸರ್ಕಾರಿ ಆಸ್ಪತ್ರೆಗಳ ಶುಚಿತ್ವದ ಮೇಲ್ವಿಚಾರಣೆ ಹಾಗೂ ನಿರ್ವಹಣೆ ಜವಾಬ್ದಾರಿ ಯಾರಿಗೆ ನೀಡಲಾಗುತ್ತಿದೆ ;

(ಉ) ಸರ್ಕಾರಿ ಆಸ್ಪತ್ರೆಗಳ ಸ್ವಚ್ಛತೆ ನಿರ್ವಹಣೆಗೆ ಸರ್ಕಾರ ನಿಗದಿಪಡಿಸಿರುವ ಅನುದಾನವೆಷ್ಟು; ಹಾಗೂ ಯಾವ ಲೆಕ್ಕ ಶೀರ್ಷಿಕೆಗಳಡಿ ಅನುದಾನ ಬಿಡುಗಡೆ ಮಾಡಲಾಗುತ್ತದೆ ;

(ಊ) ಸರ್ಕಾರಿ ಆಸ್ಪತ್ರೆಗಳ ಶುಚಿತ್ವದ ಮೇಲ್ವಿಚಾರಣೆ ಹಾಗೂ ನಿರ್ವಹಣೆಗೆ ಸಂಬಂಧಿಸಿದಂತೆ ಕಳೆದ ಮೂರು ವರ್ಷಗಳಲ್ಲಿ ಬಿಡುಗಡೆಯಾದ ಅನುದಾನವೆಷ್ಟು; 2019-20ನೇ ಸಾಲಿಗೆ ನಿಗದಿಪಡಿಸಿರುವ ಅನುದಾನವೆಷ್ಟು ? (ಜಿಲ್ಲಾವಾರು ವಿವರ ನೀಡುವುದು)